# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಏಳನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 22ನೇ ಸೆಪ್ಟೆಂಬರ್, 2020
(ಸಮಯ: ಬೆಳಿಗ್ಗೆ 10.00 ಗಂಟೆಗೆ)

----

### 1. ಕಾರ್ಯದರ್ಶಿಯವರ ವರದಿ

**ಕಾರ್ಯದರ್ಶಿಯವರು:-**

ಕಳೆದ ಅಧಿವೇಶನದಲ್ಲಿ ವರದಿಯನ್ನು ಒಪ್ಪಿಸಿದ ನಂತರ ರಾಜ್ಯಪಾಲರಿಂದ ಒಪ್ಪಿಗೆ ಪಡೆದ ವಿಧೇಯಕಗಳ ಪಟ್ಟಿಯನ್ನು ಸಭೆಯ ಮುಂದೆ ಮಂಡಿಸುವುದು.

### 2. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

**I. ಶ್ರೀ ಬಿ.ಎಸ್. ಯಡಿಯೂರಪ್ಪ (ಮುಖ್ಯಮಂತ್ರಿಗಳು) ಅವರು:**

ಅ) ಭಾರತ ಸಂವಿಧಾನದ 151(2)ನೇ ಅನುಚ್ಛೇದದ ಮೇರೆಗೆ, ಭಾರತದ ಲೆಕ್ಕನಿಯಂತ್ರಕರು ಮತ್ತು ಮಹಾಲೆಕ್ಕಪರಿಶೋಧಕರು ನೀಡಿರುವ 2018-19ನೇ ಸಾಲಿನ ಧನವಿನಿಯೋಗ ಲೆಕ್ಕಗಳು ಮತ್ತು ಹಣಕಾಸು ಲೆಕ್ಕಗಳನ್ನು (ಸಂಪುಟ I ಮತ್ತು II) ಸಭೆಯ ಮುಂದಿಡುವುದು.

ಆ) ಭಾರತ ಸಂವಿಧಾನದ 151(2)ನೇ ಅನುಚ್ಛೇದದ ಮೇರೆಗೆ, ಭಾರತದ ಲೆಕ್ಕನಿಯಂತ್ರಕರು ಮತ್ತು ಮಹಾಲೆಕ್ಕಪರಿಶೋಧಕರು ನೀಡಿರುವ ಮಾರ್ಚ್ 2019ಕ್ಕೆ ಕೊನೆಗೊಂಡ ವರ್ಷದ ರಾಜ್ಯ ಸರ್ಕಾರದ ಹಣಕಾಸಿನ ವ್ಯವಹಾರಗಳ ಲೆಕ್ಕಪರಿಶೋಧನಾ ವರದಿಯನ್ನು ಸಭೆಯ ಮುಂದಿಡುವುದು:

**II.** ಮಾನ್ಯ ಸದಸ್ಯರುಗಳಿಗೆ ಪ್ರತ್ಯೇಕವಾಗಿ ಕಳುಹಿಸಲಾಗಿರುವ ಮೊದಲನೇ ಹಾಗೂ ಎರಡನೇ ಪಟ್ಟಿಯ ರೀತ್ಯಾ.

... 2/ ..

## 3. ವರದಿಗಳನ್ನೊಪ್ಪಿಸುವುದು

1) **ಶ್ರೀ ಎಸ್. ರಘು** (ಅಧ್ಯಕ್ಷರು, ಜಂಟಿ ಪರಿಶೀಲನಾ ಸಮಿತಿ) ಅವರು 2020ನೇ ಸಾಲಿನ ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವಿಧೇಯಕವನ್ನು ಪರಿಶೀಲಿಸಲು ರಚಿಸಲಾಗಿರುವ ಜಂಟಿ ಪರಿಶೀಲನಾ ಸಮಿತಿಯ ವಿಶೇಷ ವರದಿಯನ್ನೊಪ್ಪಿಸುವುದು.

2) 2019–20ನೇ ಸಾಲಿನ ಕರ್ನಾಟಕ ವಿಧಾನಸಭೆಯ ಹಕ್ಕುಬಾಧ್ಯತೆಗಳ ಸಮಿತಿಯ ಮೊದಲನೇ ವರದಿಯನ್ನೊಪ್ಪಿಸುವುದು.

3) 2019–20ನೇ ಸಾಲಿನ ಕರ್ನಾಟಕ ವಿಧಾನಮಂಡಲದ ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ರಾಜ್ ಸಂಸ್ಥೆಗಳ 32ನೇ ವರದಿಯನ್ನೊಪ್ಪಿಸುವುದು.

4) 2019–20ನೇ ಸಾಲಿನ ಕರ್ನಾಟಕ ವಿಧಾನಮಂಡಲದ ಅನುಸೂಚಿತ ಜಾತಿ ಮತ್ತು ಪಂಗಡಗಳ ಕಲ್ಯಾಣ ಸಮಿತಿಯ ಮೂರನೇ ವರದಿಯನ್ನೊಪ್ಪಿಸುವುದು.

5) 2019–20ನೇ ಸಾಲಿನ ಕರ್ನಾಟಕ ವಿಧಾನಮಂಡಲದ ಹಿಂದುಳಿದ ವರ್ಗಗಳ ಮತ್ತು ಅಲ್ಪಸಂಖ್ಯಾತರ ಕಲ್ಯಾಣ ಸಮಿತಿಯ ಎರಡನೇ ವರದಿಯನ್ನೊಪ್ಪಿಸುವುದು.

## 4. ಚುನಾವಣಾ ಪ್ರಸ್ತಾವ

**ಶ್ರೀ ಜೆ.ಸಿ. ಮಾಧುಸ್ವಾಮಿ, (ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಹಾಗೂ ಸಣ್ಣ ನೀರಾವರಿ ಸಚಿವರು)** ಅವರು:–

ಕರ್ನಾಟಕ ವಿಧಾನಸಭೆಯ ಕಾರ್ಯವಿಧಾನ ಹಾಗೂ ನಡವಳಿಕೆಯ ನಿಯಮಗಳ ಅನುಸಾರವಾಗಿ ವರ್ಗಾಯಿಸಬಹುದಾದ ಒಂಟಿ ಮತದ ಮೂಲಕ ದಾಮಾಷಾ ಪ್ರಾತಿನಿಧ್ಯದ ತತ್ವದ ಆಧಾರದ ಮೇಲೆ:

1) 265(1)ನೇ ನಿಯಮದ ಅನುಸಾರವಾಗಿ **ಸಾರ್ವಜನಿಕ ಲೆಕ್ಕಪತ್ರಗಳ ಸಮಿತಿಗೆ ಹದಿನೈದು** ಜನ **ಸದಸ್ಯರನ್ನು**
2) 268(1)ನೇ ನಿಯಮದ ಅನುಸಾರವಾಗಿ **ಅಂದಾಜುಗಳ ಸಮಿತಿಗೆ ಹದಿನೆಂಟು** ಜನ **ಸದಸ್ಯರನ್ನು**
3) 271(1)ನೇ ನಿಯಮದ ಅನುಸಾರವಾಗಿ **ಸಾರ್ವಜನಿಕ ಉದ್ದಿಮೆಗಳ ಸಮಿತಿಗೆ ಹದಿನೈದು** ಜನ **ಸದಸ್ಯರನ್ನು**
4) 272(1)ನೇ ನಿಯಮದ ಅನುಸಾರವಾಗಿ **ಹಕ್ಕುಬಾಧ್ಯತೆಗಳ ಸಮಿತಿಗೆ ಒಂಭತ್ತು** ಜನ **ಸದಸ್ಯರನ್ನು**

5) 277(1)ನೇ ನಿಯಮದ ಅನುಸಾರವಾಗಿ **ಅಧೀನ ಶಾಸನ ರಚನಾ ಸಮಿತಿಗೆ ಹದಿನೈದು ಜನ ಸದಸ್ಯರನ್ನು**

6) 281ನೇ ನಿಯಮದ ಅನುಸಾರವಾಗಿ **ಸರ್ಕಾರಿ ಭರವಸೆಗಳ ಸಮಿತಿಗೆ ಹದಿನೈದು ಜನ ಸದಸ್ಯರನ್ನು**

7) 283(1)ನೇ ನಿಯಮದ ಅನುಸಾರವಾಗಿ **ಖಾಸಗಿ ವಿಧೇಯಕಗಳ ಹಾಗೂ ನಿರ್ಣಯಗಳ ಸಮಿತಿಗೆ ಹತ್ತು ಜನ ಸದಸ್ಯರನ್ನು**

8) 286ನೇ ನಿಯಮದ ಅನುಸಾರವಾಗಿ **ಅನುಸೂಚಿತ ಜಾತಿ ಮತ್ತು ಅನುಸೂಚಿತ ಪಂಗಡಗಳ ಕಲ್ಯಾಣ ಸಮಿತಿಗೆ ಹದಿನೈದು ಜನ ಸದಸ್ಯರನ್ನು**

9) 288ನೇ ನಿಯಮದ ಅನುಸಾರವಾಗಿ **ಹಿಂದುಳಿದ ವರ್ಗಗಳ ಮತ್ತು ಅಲ್ಪಸಂಖ್ಯಾತರ ಕಲ್ಯಾಣ ಸಮಿತಿಗೆ ಹದಿನೈದು ಜನ ಸದಸ್ಯರನ್ನು**

10) 370(2)ನೇ ನಿಯಮದ ಅನುಸಾರವಾಗಿ **ವಸತಿ ಸೌಕರ್ಯಗಳ ಸಮಿತಿಗೆ ಹನ್ನೆರಡು ಜನ ಸದಸ್ಯರನ್ನು**

ಚುನಾಯಿಸಬೇಕೆಂದು ಕೋರುವುದು.

## 5. ಶಾಸನ ರಚನೆ

### I. ವಿಧೇಯಕಗಳನ್ನು ಹಿಂಪಡೆಯುವುದು

**1. ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2015ನೇ ಸಾಲಿನ ಕರ್ನಾಟಕ ನಗರಪಾಲಿಕೆಗಳು (ತಿದ್ದುಪಡಿ) ವಿಧೇಯಕವನ್ನು ಹಿಂಪಡೆಯಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಹಿಂಪಡೆಯುವುದು.

**2. ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ವಿಶ್ವವಿದ್ಯಾನಿಲಯಗಳ ವಿಧೇಯಕವನ್ನು ಹಿಂಪಡೆಯಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಹಿಂಪಡೆಯುವುದು.

## II. ವಿಧೇಯಕಗಳನ್ನು ಮಂಡಿಸುವುದು

**1. ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಲೋಕಾಯುಕ್ತ (ಎರಡನೇ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**2. ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಪಟ್ಟಣ ಮತ್ತು ಗ್ರಾಮಾಂತರ ಯೋಜನೆ (ಎರಡನೇ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**3. ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳ (ಸಾರ್ವಜನಿಕ ವಲಯದ ಸಂಸ್ಥೆಗಳ ನೌಕರರ ಸೇವೆಗಳನ್ನು ಸಾರ್ವಜನಿಕ ಸೇವೆಗೆ ವಿಲೀನಗೊಳಿಸುವುದಕ್ಕೆ ನಿಷೇಧ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**4. ಶ್ರೀ ಗೋವಿಂದ ಎಂ. ಕಾರಜೋಳ (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಭಿಕ್ಷಾಟನೆ ನಿಷೇಧ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**5. ಡಾ. ಅಶ್ವಥ ನಾರಾಯಣ ಸಿ.ಎನ್. (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:–**

ಅ) 2020ನೇ ಸಾಲಿನ ಕನ್ನಡ ವಿಶ್ವವಿದ್ಯಾನಿಲಯ ಮತ್ತು ಇತರ ಕೆಲವು ಕಾನೂನುಗಳ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**6. ಡಾ. ಅಶ್ವಥ ನಾರಾಯಣ ಸಿ.ಎನ್. (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ರಾಜ್ಯ ಮುಕ್ತ ವಿಶ್ವವಿದ್ಯಾನಿಲಯ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**7. ಶ್ರೀ ಜೆ.ಸಿ. ಮಾಧುಸ್ವಾಮಿ (ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಹಾಗೂ ಸಣ್ಣ ನೀರಾವರಿ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ವಿಧಾನ ಮಂಡಲದ ಸಂಬಳಗಳು, ನಿವೃತ್ತಿ ವೇತನಗಳು ಮತ್ತು ಭತ್ಯೆಗಳು ಹಾಗೂ ಕೆಲವು ಇತರ ಕಾನೂನು (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**8. ಶ್ರೀ ಆರ್. ಅಶೋಕ (ಮಾನ್ಯ ಕಂದಾಯ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಭೂ ಸುಧಾರಣೆಗಳ (ಎರಡನೇ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**9. ಶ್ರೀ ಜಗದೀಶ್ ಶೆಟ್ಟರ್ (ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕಾ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಕೈಗಾರಿಕೆಗಳ (ಸೌಲಭ್ಯ) (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**10. ಶ್ರೀ ಬಿ. ಶ್ರೀರಾಮುಲು (ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಅಭಿವೃದ್ಧಿ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಖಾಸಗಿ ವೈದ್ಯಕೀಯ ಸಂಸ್ಥೆಗಳ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**11. ಶ್ರೀ ಬಿ. ಶ್ರೀರಾಮುಲು (ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಅಭಿವೃದ್ಧಿ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಸಾಂಕ್ರಾಮಿಕ ರೋಗಗಳ ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**12. ಶ್ರೀ ಕೆ.ಸಿ. ನಾರಾಯಣಗೌಡ (ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಪೌರಸಭೆಗಳ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

## III. ವಿಧೇಯಕಗಳನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

**1. ಶ್ರೀ ಗೋವಿಂದ ಎಂ. ಕಾರಜೋಳ (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ಭಿಕ್ಷಾಟನೆ ನಿಷೇಧ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**2. ಡಾ. ಅಶ್ವಥ ನಾರಾಯಣ ಸಿ.ಎನ್. (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:-**

ಅ) 2020ನೇ ಸಾಲಿನ ಕನ್ನಡ ವಿಶ್ವವಿದ್ಯಾನಿಲಯ ಮತ್ತು ಇತರ ಕೆಲವು ಕಾನೂನುಗಳ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**3. ಶ್ರೀ ಜೆ.ಸಿ. ಮಾಧುಸ್ವಾಮಿ (ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಹಾಗೂ ಸಣ್ಣ ನೀರಾವರಿ ಸಚಿವರು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ವಿಧಾನ ಮಂಡಲದ ಸಂಬಳಗಳು, ನಿವೃತ್ತಿ ವೇತನಗಳು ಮತ್ತು ಭತ್ಯೆಗಳು ಹಾಗೂ ಕೆಲವು ಇತರ ಕಾನೂನು (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**4. ಶ್ರೀ ಬಿ. ಶ್ರೀರಾಮುಲು (ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಅಭಿವೃದ್ಧಿ ಸಚಿವರು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ಖಾಸಗಿ ವೈದ್ಯಕೀಯ ಸಂಸ್ಥೆಗಳ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**5. ಶ್ರೀ ಬಿ. ಶ್ರೀರಾಮುಲು (ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಅಭಿವೃದ್ಧಿ ಸಚಿವರು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ಸಾಂಕ್ರಾಮಿಕ ರೋಗಗಳ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

... 7/ ..

6. **ಶ್ರೀ ಆರ್. ಅಶೋಕ (ಮಾನ್ಯ ಕಂದಾಯ ಸಚಿವರು) ಅವರು:–**

ಅ) 2020ನೇ ಸಾಲಿನ ಕರ್ನಾಟಕ ಭೂ ಸುಧಾರಣೆಗಳ (ಎರಡನೇ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 6. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಸಂಜೀವ್ ಮಠಂದೂರ್ ಅವರು** – ದಕ್ಷಿಣ ಕನ್ನಡ ಹಾಗೂ ಉಡುಪಿ ಜಿಲ್ಲೆಯ ರೈತರುಗಳಿಗೆ ನೀಡಿರುವ ಕುಮ್ಕಿ ಜಮೀನನ್ನು ಸಕ್ರಮ ಮಾಡಲು ಉಂಟಾಗಿರುವ ವಿಳಂಬದ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

2) **ಡಾ. ಕೆ. ಶ್ರೀನಿವಾಸ ಮೂರ್ತಿ ಅವರು** – ಸೋಲೂರು ಹೋಬಳಿಯನ್ನು ರಾಮನಗರ ಜಿಲ್ಲೆ ಮಾಗಡಿ ತಾಲ್ಲೂಕಿನಿಂದ ಬೇರ್ಪಡಿಸಿ ಬೆಂಗಳೂರು ಗ್ರಾಮಾಂತರ ಜಿಲ್ಲೆ ನೆಲಮಂಗಲ ತಾಲ್ಲೂಕಿಗೆ ಸೇರ್ಪಡೆ ಮಾಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

3) **ಶ್ರೀ ಅಭಯ ಪಾಟೀಲ ಅವರು** – ಬೆಳಗಾವಿ ದಕ್ಷಿಣ ಮತಕ್ಷೇತ್ರದ ಆಯುಷ್ಮಾನ್ ಭಾರತ – ಆರೋಗ್ಯ ಕರ್ನಾಟಕ ಯೋಜನೆಯ ಫಲಾನುಭವಿಗಳಿಗೆ ಕಾರ್ಡುಗಳನ್ನು ಹಂಚಿಕೆ ಮಾಡುವಲ್ಲಿ ಉಂಟಾಗಿರುವ ವಿಳಂಬದ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

4) **ಶ್ರೀ ಹೆಚ್.ಡಿ. ರಂಗನಾಥ್ ಅವರು** – ಕುಣಿಗಲ್ ತಾಲ್ಲೂಕಿನ ವೃದ್ಧರು, ವಿಧವೆಯರು ಹಾಗೂ ಅಂಗವಿಕಲರಿಗೆ ಕಳೆದ 8 ತಿಂಗಳಿನಿಂದ ಮಾಸಾಶನ ನೀಡದಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

5) **ಶ್ರೀ ದೊಡ್ಡಗೌಡರ ಮಹಾಂತೇಶ ಬಸವಂತರಾಯ ಅವರು** – ಬೆಳಗಾವಿ ಜಿಲ್ಲೆ ಕಿತ್ತೂರು ವಿಧಾನಸಭಾ ಕ್ಷೇತ್ರ ವ್ಯಾಪ್ತಿಯ ಇಂಧನ ಇಲಾಖೆಯಲ್ಲಿ ಸಿಬ್ಬಂದಿಯ ಕೊರತೆಯಿಂದ ರೈತರು ಅನುಭವಿಸುತ್ತಿರುವ ಸಮಸ್ಯೆಗಳ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

6) **ಶ್ರೀ ಡಿ.ಸಿ. ತಮ್ಮಣ್ಣ ಅವರು** – ಮಂಡ್ಯ ಜಿಲ್ಲೆ ಮದ್ದೂರು ಪಟ್ಟಣ ವ್ಯಾಪ್ತಿಯಲ್ಲಿ ಮೂಲಭೂತ ಸೌಕರ್ಯ, ರಸ್ತೆ ಅಭಿವೃದ್ಧಿ ಸೇರಿದಂತೆ ಮುಕ್ತಾಯ ಹಂತದಲ್ಲಿರುವ ಕಾಮಗಾರಿಗಳಿಗೆ ತಡೆಹಿಡಿದಿರುವ ಹಣವನ್ನು ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

... 8/ ..

7) **ಶ್ರೀ ಟಿ.ಡಿ. ರಾಜೇಗೌಡ ಅವರು** – ಭದ್ರಾ ಹುಲಿ ಸಂರಕ್ಷಿತ ಪ್ರದೇಶ ಮತ್ತು ಮುಳ್ಳಯ್ಯನಗಿರಿ ಸಂರಕ್ಷಣಾ ಘೋಷಣೆ ಯೋಜನೆಯ ಸಂಬಂಧ ಕೇಂದ್ರ ಸರ್ಕಾರವು ಹೊರಡಿಸಿರುವ ಅಧಿಸೂಚನೆಯಿಂದ ಜನರ ಬದುಕು ಅತಂತ್ರವಾಗುವ ಬಗ್ಗೆ ಮಾನ್ಯ ಅರಣ್ಯ ಸಚಿವರ ಗಮನ ಸೆಳೆಯುವುದು.

8) **ಶ್ರೀ ಎಲ್.ಎ. ರವಿಸುಬ್ರಮಣ್ಯ ಅವರು** – ಶ್ರೀ ಗುರುರಾಘವೇಂದ್ರ ಸಹಕಾರಿ ಬ್ಯಾಂಕಿನ ಅವ್ಯವಹಾರದಿಂದ ತೊಂದರೆಗೊಳಗಾಗಿರುವ ಠೇವಣಿದಾರರ ಹಿತ ಕಾಪಾಡಲು ಹಾಗೂ ಬ್ಯಾಂಕನ್ನು ಪುನಶ್ಚೇತನಗೊಳಿಸಲು ಕೈಗೊಳ್ಳುವ ಕ್ರಮಗಳ ಬಗ್ಗೆ ಮಾನ್ಯ ಸಹಕಾರ ಸಚಿವರ ಗಮನ ಸೆಳೆಯುವುದು.

9) **ಶ್ರೀ ಯು.ಟಿ ಅಬ್ದುಲ್ ಖಾದರ್ ಅವರು** – ರಾಜ್ಯದಾದ್ಯಂತ ಆರ್ಥಿಕವಾಗಿ ಹಿಂದುಳಿದ ಕುಟುಂಬಗಳಿಗೆ ಸೌಲಭ್ಯಗಳನ್ನು ಒದಗಿಸಲು ಅಗತ್ಯವಾಗಿರುವ ಬಿಪಿಎಲ್ ಪಡಿತರ ಚೀಟಿಯ ವಿತರಣೆಯನ್ನು ಸ್ಥಗಿತಗೊಳಿಸಿರುವುದರಿಂದ ಉಂಟಾಗಿರುವ ಸಮಸ್ಯೆಗಳ ಬಗ್ಗೆ ಮಾನ್ಯ ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರ ಗಮನ ಸೆಳೆಯುವುದು.

10) **ಶ್ರೀ ಹೆಚ್.ಡಿ. ರೇವಣ್ಣ ಅವರು** – ಹಾಸನ ಜಿಲ್ಲೆಯ ಮೊಸಳೆಹೊಸಳ್ಳಿ ಗ್ರಾಮದಲ್ಲಿ ಪ್ರಾರಂಭಿಸಲಾಗಿರುವ ಸರ್ಕಾರಿ ಇಂಜಿನಿಯರಿಂಗ್ ಕಾಲೇಜಿಗೆ ಬೋಧಕ/ಬೋಧಕೇತರ ಸಿಬ್ಬಂದಿವರ್ಗದವರನ್ನು ನೇಮಿಸಿಕೊಳ್ಳಲು/ಹುದ್ದೆಗಳನ್ನು ಸೃಜಿಸಲು ಆರ್ಥಿಕ ಇಲಾಖೆಯಿಂದ ಅನುಮೋದನೆ ನೀಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

**ಎಂ.ಕೆ. ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm